ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 24 ನೇ ಮಾರ್ಚ್, 2020

ಗುತ್ತಿಗೆದಾರರ ಹಾವಳಿ ತಡೆಗಟ್ಟುವ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1509 (1783) ಮಾನ್ಯ ನಗರಾಭಿವೃದ್ಧಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿ ವತಿಯಿಂದ ನೀರಿನ ಸಂಪರ್ಕ ಮತ್ತು ಒಳಚರಂಡಿ ಸಂಪರ್ಕವನ್ನು ಪಡೆಯುವ ಮತ್ತು ಹಿಂಪಡೆಯುವ ಸಂದರ್ಭದಲ್ಲಿ ಖಾಸಗಿ ಗುತ್ತಿಗೆದಾರರು ಕಡತ ಸಲ್ಲಿಸಿದ ನಂತರ ಕ್ರಮ ಕೈಗೊಳ್ಳುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಮಂಡಳಿ ವತಿಯಿಂದ ನೀರಿನ ಸಂಪರ್ಕ ಮತ್ತು ಒಳಚರಂಡಿ ಸಂಪರ್ಕವನ್ನು ಪಡೆಯುವವರಿಂದ ಗುತ್ತಿಗೆದಾರರು ಹೆಚ್ಚಿನ ಹಣ ವಸೂಲು ಮಾಡುತ್ತಿರುವುದು ಹಾಗೂ ಇದರಲ್ಲಿ ಅಧಿಕಾರಿ/ನೌಕರರುಗಳು ಶಾಮೀಲಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಇ) ಹಾಗಿದ್ದಲ್ಲಿ, ಈ ರೀತಿ ಹಣ ವಸೂಲು ಮಾಡುತ್ತಿರುವುದನ್ನು ತಡೆಗಟ್ಟಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು ; (ವಿವರ ನೀಡುವುದು)

(ಈ) ಗುತ್ತಿಗೆದಾರರು, ಕಡತಕ್ಕೆ ಸಹಿ ಹಾಕಿದ ನಂತರ ಸಂಬಂಧಪಟ್ಟ ಇಂಜಿನಿಯರ್‌ಗಳು ಆ ಕಡತದ ಮೇಲೆ ಕ್ರಮ ಕೈಗೊಳ್ಳುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಈ ರೀತಿ ಕ್ರಮ ಕೈಗೊಳ್ಳುತ್ತಿರುವ ಅಧಿಕಾರಿ/ನೌಕರರ ಮೇಲೆ ಸರ್ಕಾರ ಕ್ರಮ ಕೈಗೊಳ್ಳದಿರಲು ಕಾರಣವೇನು ; (ವಿವರ ನೀಡುವುದು)

(ಉ) ಹೆಚ್ಚಿನ ಹಣ ವಸೂಲಿ ಮಾಡುತ್ತಿರುವ ಹಾಗೂ ಈ ರೀತಿ ಕ್ರಮ ಕೈಗೊಳ್ಳುತ್ತಿರುವ ಗುತ್ತಿಗೆದಾರರ ಮೇಲೆ ಸರ್ಕಾರ ಕ್ರಮ ಕೈಗೊಳ್ಳಲು ಸಾಧ್ಯವೇ ; ಹಾಗಿದ್ದಲ್ಲಿ, ಇವರುಗಳ ಮೇಲೆ ಸರ್ಕಾರ ಯಾವ ರೀತಿಯ ಕ್ರಮ ಕೈಗೊಳ್ಳುವುದು ; ಇವರ ಗುತ್ತಿಗೆ ಅವಧಿಯನ್ನು ಕೊನೆಗೊಳಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ ;

(ಊ) ಖಾಯಂ ನೌಕರರ ಮುಖಾಂತರ ನೀರಿನ ಸಂಪರ್ಕ ಮತ್ತು ಒಳಚರಂಡಿ ಸಂಪರ್ಕವನ್ನು ಕಲ್ಪಿಸಲು ಸರ್ಕಾರ ಕ್ರಮ ಕೈಗೊಳ್ಳುವುದು ಯಾವಾಗ ? (ವಿವರ ನೀಡುವುದು)